# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 113 (133) |
| ಮಾನ್ಯ ಸದಸ್ಯರ ಹೆಸರು | ಶ್ರೀಮತಿ ಎಸ್. ವೀಣಾ ಅಚ್ಚಯ್ಯ (ವಿಧಾನ ಸಭೆಯಿಂದ ಚುನಾಯಿತರಾದವರು ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | 21-09-2020 |
| ಉತ್ತರಿಸಬೇಕಾದ ಸಚಿವರು | ವೈದ್ಯಕೀಯ ಶಿಕ್ಷಣ ಸಚಿವರು |

| ಕ್ರ. ಸಂ | ಪ್ರಶ್ನೆಗಳು | ಉತ್ತರಗಳು |
|---|---|---|
| (ಅ) | ಕೊಡಗು ವೈದ್ಯಕೀಯ ವಿಜ್ಞಾನ ಸಂಸ್ಥೆ ಪ್ರಾರಂಭವಾಗಿ ಎಷ್ಟು ವರ್ಷಗಳು ಸಂದಿವೆ; | ಕೊಡಗು ವೈದ್ಯಕೀಯ ವಿಜ್ಞಾನಗಳ ಸಂಸ್ಥೆಯನ್ನು 2016 ರಲ್ಲಿ ಪ್ರಾರಂಭಿಸಲಾಗಿದ್ದು, 4 ವರ್ಷಗಳು ಪೂರ್ಣಗೊಂಡಿರುತ್ತವೆ. |
| (ಆ) | ಸದರಿ ಸಂಸ್ಥೆಯಲ್ಲಿ ಇಂದಿಗೂ ಮೂಲ ಸೌಲಭ್ಯಗಳ ಕೊರತೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಆಯಾ ಶೈಕ್ಷಣಿಕ ವರ್ಷದಲ್ಲಿ ದಾಖಲಾಗುವ ವೈದ್ಯಕೀಯ ವಿದ್ಯಾರ್ಥಿಗಳ ಸಂಖ್ಯೆಗೆ ಅನುಗುಣವಾಗಿ ಎಂ.ಸಿ.ಐ. ನಿಯಮಾವಳಿಗಳನ್ವಯ ಅವಶ್ಯವಿರುವ ಮೂಲ ಸೌಲಭ್ಯಗಳನ್ನು ಕಲ್ಪಿಸಲು ಅನುದಾನವನ್ನು ಬಿಡುಗಡೆ ಮಾಡಲಾಗಿರುತ್ತದೆ. ಮತ್ತು ಕೊಡಗು ವೈದ್ಯಕೀಯ ವಿಜ್ಞಾನಗಳ ಸಂಸ್ಥೆಯ ಆವರಣದಲ್ಲಿ 450 ಹಾಸಿಗೆ ಸಾಮರ್ಥ್ಯದ ಆಸ್ಪತ್ರೆ ಹಾಗೂ ಹಾಸ್ಟೆಲ್ ಕಟ್ಟಡ ನಿರ್ಮಾಣಕ್ಕಾಗಿ ಈಗಾಗಲೇ ಆಡಳಿತಾತ್ಮಕ ಅನುಮೋದನೆ ನೀಡಿ ಅನುದಾನವನ್ನು ಸಹ ಬಿಡುಗಡೆ ಮಾಡಲಾಗಿರುತ್ತದೆ. ಸದರಿ ಕಟ್ಟಡಗಳ ಕಾಮಗಾರಿಗಳು ಪ್ರಗತಿಯಲ್ಲಿರುತ್ತದೆ. |
| (ಇ) | ಈ ರೀತಿ ಮೂಲ ಸೌಲಭ್ಯಗಳನ್ನು ಕಲ್ಪಿಸುವಲ್ಲಿ ವಿಳಂಬವಾಗಿರುವುದರಿಂದ ಶೈಕ್ಷಣಿಕ ಗುಣಮಟ್ಟ ಕುಸಿಯುವುದಿಲ್ಲವೇ; | ಎಂ.ಸಿ.ಐ. ನಿಯಮಾವಳಿಗಳನ್ವಯ ಅವಶ್ಯವಿರುವ ಮೂಲ ಸೌಲಭ್ಯಗಳನ್ನು ಹಂತ ಹಂತವಾಗಿ ಒದಗಿಸಲು ಕ್ರಮ ವಹಿಸುತ್ತಿರುವುದರಿಂದ, ಶೈಕ್ಷಣಿಕ ಗುಣಮಟ್ಟದಲ್ಲಿ ಯಾವುದೇ ಹಿನ್ನಡೆಯಾಗಿರುವುದಿಲ್ಲ. |
| (ಈ) | ಸದರಿ ಮೂಲ ಸೌಲಭ್ಯಗಳನ್ನು ಕೂಡಲೇ ಒದಗಿಸಿ ಸಂಸ್ಥೆಯು ಉನ್ನತ ಮಟ್ಟದ ವೈದ್ಯಕೀಯ ಶಿಕ್ಷಣ ನೀಡಲು ಅನುವಾಗುವಂತೆ ಸರ್ಕಾರ ಈ ಕೂಡಲೇ ಕ್ರಮ ವಹಿಸುವುದೇ? | |

**ಕಡತ ಸಂ: ಎಂಇಡಿ 334 ಎಂ ಎಸ್ ಎಫ್ 2020**

(ಡಾ: ಕೆ. ಸುಧಾಕರ್)

ವೈದ್ಯಕೀಯ ಶಿಕ್ಷಣ ಸಚಿವರು.